ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ಸರ್ವ ಶಿಕ್ಷಣ ಅಭಿಯಾನ ಯೋಜನೆ ಕುರಿತು

ಶ್ರೀ ಎಂ. ಎ. ಗೋಪಾಲಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

26 (09) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) 2012-13ನೇ ಸಾಲಿನವರೆಗೆ ರಾಜ್ಯಾದ್ಯಂತ ಸರ್ಕಾರಿ ಶಾಲೆಗಳಿಗೆ ಮೂಲಭೂತ ಸೌಕರ್ಯ ಒದಗಿಸಲು ಸರ್ವ ಶಿಕ್ಷಣ ಅಭಿಯಾನದಡಿ ಅನುದಾನ ಒದಗಿಸಲಾಗುತ್ತಿದ್ದು, ಅಭಿಯಾನದ ಅವಧಿ ಮುಗಿದ ನಂತರದ ದಿನಗಳಲ್ಲಿ ಸರ್ಕಾರಿ ಶಾಲೆಗಳ ದುರಸ್ಥಿ/ಅಭಿವೃದ್ಧಿಗೆ ಅನುದಾನದ ಕೊರತೆ ಉಂಟಾಗಿದ್ದು, ಶಾಲೆಗಳ ಸ್ಥಿತಿ ಚಿಂತಾಜನಕವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಬಗ್ಗೆ ಸರ್ಕಾರ ಕೈಗೊಂಡಿರುವ ಕ್ರಮಗಳೇನು;

(ಆ) ಸರ್ವ ಶಿಕ್ಷಣ ಅಭಿಯಾನದ ಬದಲಿಗೆ ಯಾವ ಯೋಜನೆಯಿಂದ ಸರ್ಕಾರಿ ಶಾಲೆಗಳ ಅಭಿವೃದ್ಧಿಗೆ ಅನುದಾನ ಒದಗಿಸಲು ತೀರ್ಮಾನಿಸಲಾಗಿದೆ? (ವಿವರ ನೀಡುವುದು)